# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ | : | 386 |
| ವಿಧಾನ ಸಭೆ ಸದಸ್ಯರು | : | ಶ್ರೀ ವಿಜಯ ಸಿಂಗ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| ಉತ್ತರಿಸುವ ದಿನಾಂಕ | : | 15.09.2021 |
| ಉತ್ತರಿಸುವ ಸಚಿವರು | : | ಮಾನ್ಯ ಪಶುಸಂಗೋಪನೆ ಸಚಿವರು |

| ಕ್ರ. ಸಂ. | ಪ್ರಶ್ನೆಗಳು | ಉತ್ತರಗಳು |
|---|---|---|
| ಅ) | ಬೀದರ್ ಜಿಲ್ಲೆಯ ಪಶುವೈದ್ಯಕೀಯ ವಿಶ್ವವಿದ್ಯಾಲಯದಲ್ಲಿ ಕಾರ್ಯನಿರ್ವಹಿಸುತ್ತಿರುವ ಸಿಬ್ಬಂದಿಗಳ ಸಂಖ್ಯೆ ಎಷ್ಟು; ಈ ವಿಶ್ವವಿದ್ಯಾನಿಲಯದಲ್ಲಿ ಅರ್ಧಕ್ಕಿಂತ ಹೆಚ್ಚು ಹುದ್ದೆಗಳು ಖಾಲಿಯಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬೀದರ ಜಿಲ್ಲೆಯ ಪಶುವೈದ್ಯಕೀಯ ವಿಶ್ವವಿದ್ಯಾಲಯದಲ್ಲಿ ಮಂಜೂರಾದ, ಭರ್ತಿಯಾದ ಮತ್ತು ಖಾಲಿ ಇರುವ ಹುದ್ದೆಗಳ ವಿವರ ಈ ಕೆಳಕಂಡಂತಿರುತ್ತದೆ. |

| ಕ್ರ. ಸಂ. | ಹುದ್ದೆ | ಮಂಜೂರಾದ ಹುದ್ದೆ | ಭರ್ತಿಯಾದ ಹುದ್ದೆ | ಖಾಲಿಯಿರುವ ಹುದ್ದೆಗಳು |
|---|---|---|---|---|
| 01 | ಬೋಧಕ | 715 | 245 | 470 |
| 02 | ಬೋಧಕೇತರ | 1106 | 284 | 822 |
| | ಒಟ್ಟು | **1821** | **529** | **1292** |

| | | |
|---|---|---|
| | | ವಿಶ್ವವಿದ್ಯಾಲಯಕ್ಕೆ ಮಂಜೂರಾದ ಹುದ್ದೆಗಳ ಪೈಕಿ ಅರ್ಧಕ್ಕಿಂತಲೂ ಹೆಚ್ಚು ಹುದ್ದೆಗಳು ಖಾಲಿಯಿರುವುದು ಸರ್ಕಾರದ ಗಮನಕ್ಕೆ ಬಂದಿರುತ್ತದೆ. |
| ಆ) | ಖಾಲಿಯಿರುವ ಹುದ್ದೆಗಳನ್ನು ಭರ್ತಿ ಮಾಡಲಾಗುವುದು ಯಾವಾಗ? (ಸಂಪೂರ್ಣ ವಿವರಗಳನ್ನು ನೀಡುವುದು) | ಕರ್ನಾಟಕ ಪಶುವೈದ್ಯಕೀಯ ಪಶು ಹಾಗೂ ಮೀನುಗಾರಿಕೆ ವಿಜ್ಞಾನಗಳ ವಿಶ್ವವಿದ್ಯಾಲಯ, ಬೀದರ ಇಲ್ಲಿ ಖಾಲಿ ಇರುವ ಹುದ್ದೆಗಳ ಪೈಕಿ ಸರ್ಕಾರವು ಈಗಾಗಲೇ 616 (ಬೋಧಕ 390 ಮತ್ತು ಬೋಧಕೇತರ 226 ಹುದ್ದೆಗಳು) ಹುದ್ದೆಗಳಿಗೆ ದಿನಾಂಕ 11.12.2019 ರಂದು ನೇರ ನೇಮಕಾತಿ ಮೂಲಕ ಭರ್ತಿ ಮಾಡಿಕೊಳ್ಳಲು ಅನುಮತಿ ನೀಡಿರುತ್ತದೆ. ನೇಮಕಾತಿ ಪ್ರಕ್ರಿಯೆ ಪ್ರಾರಂಭಿಸುವ ಸಮಯದಲ್ಲಿ ದೇಶಾದ್ಯಂತ ಕೋವಿಡ್-19 ಸಾಂಕ್ರಾಮಿಕ ರೋಗ ಹರಡುವಿಕೆಯಿಂದ ಉಂಟಾದ ಆರ್ಥಿಕ ಸಂಕಷ್ಟದ ಹಿನ್ನೆಲೆಯಲ್ಲಿ ಆರ್ಥಿಕ ಇಲಾಖೆಯು ಸುತ್ತೋಲೆಯೊಂದನ್ನು ಹೊರಡಿಸಿ ಎಲ್ಲಾ ನೇಮಕಾತಿಗಳನ್ನು ಮುಂದಿನ ಆದೇಶದವರೆಗೆ ತಡೆಹಿಡಿದು ಆದೇಶ ಮಾಡಿರುತ್ತದೆ. ಪ್ರಸ್ತುತ ಸದರಿ ಹುದ್ದೆಗಳನ್ನು ಭರ್ತಿ ಮಾಡಿಕೊಳ್ಳಲು ವಿಶ್ವವಿದ್ಯಾಲಯಕ್ಕೆ ಅನುಮತಿ ನೀಡುವ ಕುರಿತಂತೆ ಆರ್ಥಿಕ ಇಲಾಖೆಯ ಸಹಮತಿಯನ್ನು ಕೋರಲಾಗಿದ್ದು, |

| | | |
|---|---|---|
| | | ಆರ್ಥಿಕ ಇಲಾಖೆಯ ಅನುಮತಿ ದೊರೆತ ನಂತರ ಹುದ್ದೆಗಳನ್ನು ನಿಯಮಾನುಸಾರ ಭರ್ತಿ ಮಾಡಲು ವಿಶ್ವವಿದ್ಯಾಲಯಕ್ಕೆ ಸೂಚಿಸಲಾಗುವುದು. |

ಸಂಖ್ಯೆ: ಪಸಂಮೀ ಇ-262 ಪಅಸೇ 2021

(ಪ್ರಭು.ಬಿ. ಚವ್ಹಾಣ್)
ಪಶುಸಂಗೋಪನೆ ಸಚಿವರು